ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಮಂಗಳವಾರ, ದಿನಾಂಕ : 17 ನೇ ಮಾರ್ಚ್, 2020

ಘನ ತ್ಯಾಜ್ಯ ನಿರ್ವಹಣೆಯಲ್ಲಿ ತೊಂದರೆ ಬಗ್ಗೆ

ಶ್ರೀ ಘೋಟ್ನೆಕರ ಶ್ರೀಕಾಂತ ಲಕ್ಷ್ಮಣ(ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

1085 (1142) ಮಾನ್ಯ ಪೌರಾಡಳಿತ ಹಾಗೂ ತೋಟಗಾರಿಕೆ ಮತ್ತು ರೇಷ್ಮೆ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಕಾರವಾರ ಜಿಲ್ಲೆಯ ವಿವಿಧ ತಾಲ್ಲೂಕುಗಳಲ್ಲಿ ನಗರಸಭೆ, ಪುರಸಭೆ, ಪಟ್ಟಣ ಪಂಚಾಯಿತಿಗಳಿಂದ ಘನ ತ್ಯಾಜ್ಯ ನಿರ್ವಹಣೆ ಸರಿಯಾಗಿ ಆಗದೆ ಸಾರ್ವಜನಿಕರಿಗೆ ತೊಂದರೆಯಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ; (ವಿವರ ನೀಡುವುದು)

(ಆ) ಹಾಗಿದ್ದಲ್ಲಿ, ಕಾರವಾರ ಜಿಲ್ಲೆಯ ವಿವಿಧ ತಾಲ್ಲೂಕಿನಲ್ಲಿ ನಗರಸಭೆ, ಪುರಸಭೆ, ಪಟ್ಟಣ ಪಂಚಾಯತ್‌ನಿಂದ ಮಂಜೂರಾಗಿರುವ ಪೌರ ಕಾರ್ಮಿಕರ ಹುದ್ದೆಗಳೆಷ್ಟು ; ಕಾರ್ಯನಿರ್ವಹಿಸುತ್ತಿರುವ ಪೌರ ಕಾರ್ಮಿಕರ ಸಂಖ್ಯೆ ಎಷ್ಟು ; ಖಾಲಿ ಇರುವ ಹುದ್ದೆಗಳೆಷ್ಟು ;

(ಇ) ಕಾರವಾರ ಜಿಲ್ಲೆಯ ವಿವಿಧ ತಾಲ್ಲೂಕಿನಲ್ಲಿ ನಗರಸಭೆ, ಪುರಸಭೆ, ಪಟ್ಟಣ ಪಂಚಾಯತ್‌ನಲ್ಲಿ ಘನ ತ್ಯಾಜ್ಯ ನಿರ್ವಹಣೆಯನ್ನು ಖಾಸಗಿಯವರು ನಿರ್ವಹಿಸುತ್ತಿದ್ದಾರೆಯೇ ; ಹಾಗಿದ್ದಲ್ಲಿ, ಅದಕ್ಕೆ ತಗಲುತ್ತಿರುವ ವೆಚ್ಚ ಎಷ್ಟು ;

(ಈ) ಸದರಿ ಘನ ತ್ಯಾಜ್ಯ ನಿರ್ವಹಣೆಯನ್ನು ಮಾಡುವಲ್ಲಿ ಹೆಚ್ಚಿನ ಸಿಬ್ಬಂದಿಯನ್ನು ದಿನಗೂಲಿ ಮೇಲೆ ನೇಮಿಸುವ ಅವಕಾಶವಿದೆಯೇ; ಕಳೆದ 5 ವರ್ಷಗಳಿಂದ ದಿನಗೂಲಿ ಮೇಲೆ ಎಷ್ಟು ಸಿಬ್ಬಂದಿಗಳನ್ನು ಈ ಕೆಲಸಕ್ಕೆ ನಿಯೋಜಿಸಲಾಗಿದೆ, ಅವರಿಗೆ ಪ್ರತಿ ದಿನ ನೀಡುವ ಸಂಬಳ ಎಷ್ಟು ? (ತಾಲ್ಲೂಕುವಾರು, ಜಿಲ್ಲಾವಾರು ಸವಿಸ್ತಾರ ವರದಿ ನೀಡುವುದು)